# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹದಿನೈದನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 23ನೇ ಫೆಬ್ರವರಿ, 2023

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಎಂಟನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಎಂಟನೇ ಪಟ್ಟಿ

### 2. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಕರ್ನಾಟಕ ಗ್ರಾಮೀಣ ಮೂಲಭೂತಸೌಕರ್ಯ ಅಭಿವೃದ್ಧಿ ನಿಯಮಿತ ಮೇಲಿನ ಕಾರ್ಯನಿರ್ವಹಣಾ ಲೆಕ್ಕಪರಿಶೋಧನೆ ವರದಿ (2022ನೇ ವರ್ಷದ ವರದಿ ಸಂಖ್ಯೆ:9), ಕಲ್ಯಾಣ ಕರ್ನಾಟಕ ಪ್ರದೇಶ ಅಭಿವೃದ್ಧಿ ಮಂಡಳಿಯ ಕಾರ್ಯಕ್ಷಮತೆಯ ಮೇಲಿನ ಕಾರ್ಯನಿರ್ವಹಣಾ ಲೆಕ್ಕಪರಿಶೋಧನೆ ವರದಿ (2022ನೇ ವರ್ಷದ ವರದಿ ಸಂಖ್ಯೆ:10) ಹಾಗೂ ಮಾರ್ಚ್ 2021ಕ್ಕೆ ಕೊನೆಗೊಂಡ ವರ್ಷದ ಭಾರತದ ಲೆಕ್ಕನಿಯಂತ್ರಕರ ಮತ್ತು ಮಹಾಲೆಕ್ಕಪರಿಶೋಧಕರ ಅನುಪಾಲನಾ ಲೆಕ್ಕಪರಿಶೋಧನೆ ವರದಿಯನ್ನು (2023ನೇ ವರ್ಷದ ವರದಿ ಸಂಖ್ಯೆ:1) ಸಭೆಯ ಮುಂದಿಡುವುದು.

### 3. ವರದಿಯನ್ನೊಪ್ಪಿಸುವುದು

1) **ಶ್ರೀ ಎಂ.ಪಿ. ಕುಮಾರಸ್ವಾಮಿ** (ಅಧ್ಯಕ್ಷರು, ಅನುಸೂಚಿತ ಜಾತಿ ಹಾಗೂ ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿ) ಅವರು ಕರ್ನಾಟಕ ವಿಧಾನಮಂಡಲದ ಅನುಸೂಚಿತ ಜಾತಿ ಹಾಗೂ ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿಯ ಏಳನೇ ವರದಿಯನ್ನೊಪ್ಪಿಸುವುದು.

## 4. ವಿತ್ತೀಯ ಕಾರ್ಯಕಲಾಪಗಳು

ಅ) 2023-24ನೇ ಸಾಲಿನ ಆಯವ್ಯಯ ಅಂದಾಜುಗಳ ಮೇಲೆ ನಡೆದ ಸಾಮಾನ್ಯ ಚರ್ಚೆಗೆ ಸರ್ಕಾರದ ಉತ್ತರ ಹಾಗೂ ಮತಕ್ಕೆ ಹಾಕುವುದು.

ಆ) 2022-23ನೇ ಸಾಲಿನ ಸಾಲಿನ ಪೂರಕ ಅಂದಾಜುಗಳ (ಮೂರನೇ ಹಾಗೂ ಅಂತಿಮ ಕಂತು) ಬೇಡಿಕೆಗಳ ಮೇಲೆ ಚರ್ಚೆ, ಸರ್ಕಾರದ ಉತ್ತರ ಹಾಗೂ ಮತಕ್ಕೆ ಹಾಕುವುದು.

## 5. ಶಾಸನ ರಚನೆ

### I. ವಿಧೇಯಕವನ್ನು ಮಂಡಿಸುವುದು

1. **ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) 2023ನೇ ಸಾಲಿನ ಕರ್ನಾಟಕ ವೃತ್ತಿಗಳ, ಕಸಬುಗಳ, ಆಜೀವಿಕೆಗಳ ಮತ್ತು ಉದ್ಯೋಗಗಳ ಮೇಲಣ ತೆರಿಗೆ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

2. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಬಿಎಮ್‌ಎಸ್ ವಿಶ್ವವಿದ್ಯಾಲಯ ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) 2023ನೇ ಸಾಲಿನ ಕರ್ನಾಟಕ ವೃತ್ತಿಗಳ, ಕಸಬುಗಳ, ಆಜೀವಿಕೆಗಳ ಮತ್ತು ಉದ್ಯೋಗಗಳ ಮೇಲಣ ತೆರಿಗೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರು) ಅವರು:-**

ಅ) 2022ನೇ ಸಾಲಿನ ಬಿಎಮ್‌ಎಸ್ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಶ್ರೀ ವಿ. ಸುನಿಲ್ ಕುಮಾರ್ (ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**

ಅ) 2022ನೇ ಸಾಲಿನ ಕನ್ನಡ ಭಾಷಾ ಸಮಗ್ರ ಅಭಿವೃದ್ಧಿ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಡಿ.ಕೆ. ಶಿವಕುಮಾರ್ ಅವರು** – ಬೆಂಗಳೂರು ಅಭಿವೃದ್ಧಿ ಪ್ರಾಧಿಕಾರವು ಶಿವರಾಮ ಕಾರಂತ ಬಡಾವಣೆಯನ್ನು ನಿರ್ಮಿಸಲು ಸ್ವಾಧೀನಪಡಿಸಿಕೊಂಡ ಭೂಮಿ, ಬಡಾವಣೆ ನಿರ್ಮಿಸಿರುವ ವಿಸ್ತೀರ್ಣ, ಬಾಕಿ ಉಳಿದಿರುವ ವಿಸ್ತೀರ್ಣ, ಭೂ ಸ್ವಾಧೀನಪಡಿಸಿಕೊಂಡ ರೈತರಿಗೆ ಪ್ರತಿ ಎಕರೆಗೆ ನೀಡಿರುವ ಪರಿಹಾರ ಮೊತ್ತ, ಕಾಮಗಾರಿಯನ್ನು ನಿರ್ವಹಿಸಲು ಗುತ್ತಿಗೆಯನ್ನು ನೀಡಿರುವ ಕಂಪನಿ/ಏಜೆನ್ಸಿ, ಗುತ್ತಿಗೆಯನ್ನು ನೀಡುವಾಗ ಅನುಸರಿಸಿರುವ ಮಾನದಂಡ, ಬಡಾವಣೆಯ ನಿರ್ಮಾಣದ ಹಂತ ಇವುಗಳ ವಿವರ ಹಾಗೂ ಟೆಂಡರ್ ಪ್ರಕ್ರಿಯೆಯಲ್ಲಿ ನಡೆದಿರುವ ಅವ್ಯವಹಾರ ಕುರಿತು ಕ್ರಮ ಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

2) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಕೆ.ಎಸ್. ಲಿಂಗೇಶ್, ಸುರೇಶ್ ಗೌಡ ಹಾಗೂ ಇತರರು** – ಹಾಸನ ನಗರ ಸಭೆಗೆ ವಿವಿಧ ಗ್ರಾಮಗಳನ್ನು ಸೇರ್ಪಡೆ ಮಾಡಿ ಆದೇಶವಾಗಿದ್ದರೂ ಕೆಲವು ಗ್ರಾಮ ಪಂಚಾಯತಿಗಳಲ್ಲಿ ನಿಯಮಬಾಹಿರವಾಗಿ ಕೋಟ್ಯಾಂತರ ರೂಪಾಯಿ ಬೆಲೆ ಬಾಳುವ ಸಿ.ಎ. ನಿವೇಶನಗಳನ್ನು ವಿವಿಧ ಸಂಘಗಳಿಗೆ ನೀಡಿರುವ ಕುರಿತು ಸಮಗ್ರವಾಗಿ ತನಿಖೆ ಮಾಡಿ ತಪ್ಪಿತಸ್ಥ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

3) **ಶ್ರೀ ಕೆ. ಮಹದೇವ ಅವರು** – ಪಿರಿಯಾಪಟ್ಟಣ ಮತಕ್ಷೇತ್ರಕ್ಕೆ ತಾಯಿ ಮತ್ತು ಮಕ್ಕಳ ಆಸ್ಪತ್ರೆಯನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ ಅವರು** – ರಾಜ್ಯದಲ್ಲಿ ಪ್ರಾಥಮಿಕ ಶಿಕ್ಷಕರ ಕೊರತೆ ಇರುವುದರಿಂದ ನೇಮಕಾತಿ ಪ್ರಕ್ರಿಯೆಯನ್ನು ಕೂಡಲೇ ಕೈಗೊಳ್ಳುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

5) **ಶ್ರೀ ಹೆಚ್. ಹಾಲಪ್ಪ ಹರತಾಳು ಅವರು** – ಸಾಗರ ತಾಲ್ಲೂಕಿನ ವಿವಿಧ ಗ್ರಾಮಗಳ ಕಂದಾಯ ಭೂಮಿಯನ್ನು ಉಳುಮೆ ಮಾಡಿಕೊಂಡಿರುವ ಜಾಗವನ್ನು ಅಂಬಾರಗೋಡು ಜೀವವೈವಿಧ್ಯ ತಾಣವನ್ನಾಗಿ ಘೋಷಿಸಿ ರೈತರನ್ನು ಒಕ್ಕಲೆಬ್ಬಿಸುತ್ತಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

6) **ಶ್ರೀ ಬಂಡೆಪ್ಪ ಖಾಶೆಂಪೂರ ಅವರು** – ರಾಜ್ಯದಲ್ಲಿ ರಾಷ್ಟ್ರೀಯ ಆರೋಗ್ಯ ಅಭಿಯಾನ (ಎನ್.ಹೆಚ್.ಎಂ.) ಅಡಿಯಲ್ಲಿ ಅಲ್ಪ ಮೊತ್ತದ ವೇತನದಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಒಳಗುತ್ತಿಗೆ ನೌಕರರನ್ನು ಖಾಯಂಗೊಳಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

7) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹೊಳೆನರಸೀಪುರ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ಶಾಂತಿಗ್ರಾಮದಲ್ಲಿ ಡಾ|| ಬಿ.ಆರ್. ಅಂಬೇಡ್ಕರ್ ವಸತಿ ಶಾಲೆಯ ಕಟ್ಟಡವನ್ನು ನಿರ್ಮಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

..4/

8) **ಶ್ರೀ ಸಿ.ಎಸ್. ನಿರಂಜನ್ ಕುಮಾರ್ ಅವರು** – ಕೆ.ಆರ್. ಆಸ್ಪತ್ರೆಯಲ್ಲಿ MMC & RI ಸಂಸ್ಥೆಯ ನೆಫ್ರೋಲಜಿ ಮತ್ತು ಯುರಾಲಜಿ ವಿಭಾಗಗಳು ಕೆಳ ಅಂತಸ್ತುಗಳಲ್ಲಿ ಹಾಗೂ ಬೆಂಗಳೂರಿನ ನೆಫ್ರೋ ಯುರಾಲಜಿ ಸಂಸ್ಥೆಯ ನೆಫ್ರೋಲಜಿ ಘಟಕವು 4ನೇ ಮಹಡಿಯಲ್ಲಿ ನಡೆಯುತ್ತಿದ್ದು, MMC & RI ನಲ್ಲಿ ನೆಫ್ರೋ-ಯುರಾಲಜಿ ಘಟಕವನ್ನು ವಿಲೀನಗೊಳಿಸುವ ಬಗ್ಗೆ ಹಾಗೂ ನೆಫ್ರೋಲಜಿ ಘಟಕವನ್ನು ಚಾಮರಾಜನಗರಕ್ಕೆ ಸ್ಥಳಾಂತರಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

9) **ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು** – ಹಾಸನ ಜಿಲ್ಲೆ ಆಲೂರು ತಾಲ್ಲೂಕು ಮಲ್ಲಾಪುರ ಗ್ರಾಮಕ್ಕೆ ಮಂಜೂರಾಗಿರುವ ಅಂಬೇಡ್ಕರ್ ವಸತಿ ಶಾಲೆಯ ಕಾಮಗಾರಿಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

10) **ಶ್ರೀ ಎಲ್. ನಾಗೇಂದ್ರ ಅವರು** – ಮೈಸೂರು ನಗರದಲ್ಲಿ ನಿರ್ಮಾಣವಾಗುತ್ತಿರುವ ಡಾ॥ ಬಿ.ಆರ್. ಅಂಬೇಡ್ಕರ್ ಭವನದ ಕಾಮಗಾರಿಯನ್ನು ತ್ವರಿತಗತಿಯಲ್ಲಿ ಪೂರ್ಣಗೊಳಿಸಲು ಅನುದಾನ ಬಿಡುಗಡೆ ಮಾಡುವ ಬಗ್ಗೆ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

11) **ಶ್ರೀ ಎಂ.ಪಿ. ಕುಮಾರಸ್ವಾಮಿ ಅವರು** – ಕೃಷ್ಣ ಭಾಗ್ಯ ಜಲ ನಿಗಮ ನಿಯಮಿತದ ಸಿ ಮತ್ತು ಡಿ ನೌಕರರಿಗೆ ಪಿಂಚಣಿ ಸೌಲಭ್ಯ ಒದಗಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

12) **ಶ್ರೀ ಗುತ್ತೇದಾರ್ ಸುಭಾಷ ರುಕ್ಮಯ್ಯ ಅವರು** – ಬೆಂಗಳೂರು ನಗರ ಜಿಲ್ಲೆಯಲ್ಲಿ ಕಿವುಡ ಮಕ್ಕಳ ಸರ್ಕಾರಿ ವಸತಿಯುತ ಶಾಲೆಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

13) **ಶ್ರೀ ಹೆಚ್.ಕೆ. ಪಾಟೀಲ ಅವರು** – ಗದಗ ವೈದ್ಯಕೀಯ ವಿಜ್ಞಾನ ಸಂಸ್ಥೆಯಲ್ಲಿ ಸ್ವೈಪಂಡರಿ ಆಧಾರದ ಮೇಲೆ ಕರ್ತವ್ಯ ನಿರ್ವಹಿಸುತ್ತಿರುವ ಶುಶ್ರೂಷ ಅಧಿಕಾರಿಗಳನ್ನು ಗುತ್ತಿಗೆ ಆಧಾರಿತ ನೌಕರರೆಂದು ಪರಿಗಣಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

14) **ಶ್ರೀ ಸಾ.ರಾ ಮಹೇಶ್ ಅವರು** – ರಾಜ್ಯದಲ್ಲಿ ಅಗ್ರಿಗೋಲ್ಡ್ ಕಂಪನಿಯಲ್ಲಿ ಹಣ ಹೂಡಿಕೆ ಮಾಡಿರುವ ಲಕ್ಷಾಂತರ ಗ್ರಾಹಕರು ಹಾಗೂ ಏಜೆಂಟರುಗಳ ಪರವಾಗಿ ಸೂಕ್ತ ಕಾನೂನು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***